


# ಕರ್ನಾಟಕ ವಿಧಾನಪರಿಷತ್ತು

## ನೂರ ನಲವತ್ತ ಮೂರನೆಯ ಅಧಿವೇಶನದ ಮುಂದುವರೆದ ಉಪವೇಶನ

**ಚುಕ್ಕೆ ರಹಿತ ಪ್ರಶ್ನೆ**

ದಿನಾಂಕ : 23-03-2021 ಪ್ರಶ್ನೆ ಸಂಖ್ಯೆ : 1632(1960)

ಸದಸ್ಯರ ಹೆಸರು ಮತ್ತು ಕ್ಷೇತ್ರ : ಶ್ರೀ ಕಾಂತ್‌ರಾಜ್(ಬಿಎಂಎಲ್)(ಸ್ಥಳೀಯ ಸಂಸ್ಥೆಗಳ ಕ್ಷೇತ್ರ)

ಉತ್ತರ ನೀಡಬೇಕಾದ ದಿನಾಂಕ : 23-03-2021

ಉತ್ತರಿಸುವ ಸಚಿವರು: ಮಾನ್ಯ ನಗರಾಭಿವೃದ್ಧಿ ಸಚಿವರು

ವಿಷಯ : ವಿನ್ಯಾಸ ನಕ್ಷೆ ಅನುಮೋದನೆ ಪಡೆಯದ ನಿವೇಶನಗಳಿಗೆ ತಾಂತ್ರಿಕ ಅಭಿಪ್ರಾಯ ನೀಡುವ ಬಗ್ಗೆ

(ಅ) ಕರ್ನಾಟಕ ನಗರ ಮತ್ತು ಗ್ರಾಮಾಂತರ ಯೋಜನಾ ಇಲಾಖೆಯನ್ನು ಯಾವಾಗ ಸ್ಥಾಪಿಸಲಾಯಿತು; ಇದರ ಧ್ಯೇಯೋದ್ದೇಶಗಳೇನು;

(ಆ) ನಗರ ಪಟ್ಟಣಗಳಿಗೆ ಸ್ಥಳೀಯ ಯೋಜನಾ ಪ್ರದೇಶವೆಂದು ಘೋಷಿಸುವ ಮುಂಚೆಯೇ ಭೂ ಪರಿವರ್ತನೆಯಾದ ಜಮೀನುಗಳನ್ನು ವಿನ್ಯಾಸ ನಕ್ಷೆ ಅನುಮೋದನೆ ಪಡೆಯದೆಯೇ ಅನಧಿಕೃತವಾಗಿ ವಿಭಜಿಸದ ಸ್ಥಳೀಯ ಸಂಸ್ಥೆಗಳಲ್ಲಿ ಖಾತೆ ತೆರೆದ ನಿವೇಶನಗಳಿಗೆ ಕಟ್ಟಡ ನಿರ್ಮಾಣ ಸಂಬಂಧ ತಾಂತ್ರಿಕ ಅಭಿಪ್ರಾಯ ನೀಡಬಹುದೇ; (ವಿವರವಾದ ಮಾಹಿತಿ ನೀಡುವುದು)

(ಇ) ಒಂದು ವೇಳೆ ಅಭಿಪ್ರಾಯ ನೀಡಬಾರದಾಗಿದ್ದರೆ ಇದಕ್ಕೆ ಕಾರಣಗಳೇನು; (ವಿವರವಾದ ಮಾಹಿತಿ ನೀಡುವುದು)

(ಈ) ಈ ನಿವೇಶನಗಳನ್ನು ಯಾವಾಗ ಸಕ್ರಮ ಮಾಡಲಾಗುವುದು?